ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ಅರ್ಚಕರಿಗೆ ವೇತನ ಹೆಚ್ಚಳ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನ ಸಭೆಯಿಂದ ಚುನಾಯಿತರಾದವರು):-

257 (251) ಮಾನ್ಯ ಮುಜರಾಯಿ ಹಾಗೂ ಮೀನುಗಾರಿಕೆ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಮುಜರಾಯಿ ಇಲಾಖೆಗೆ ಒಳಪಡುವ ದೇವಸ್ಥಾನಗಳಲ್ಲಿ ಸೇವೆ ಸಲ್ಲಿಸುತ್ತಿರುವ ಅರ್ಚಕರಿಗೆ ಮತ್ತು ಇತರ ಸಹಾಯಕರಿಗೆ ಪ್ರಸ್ತುತ ನೀಡುತ್ತಿರುವ ವೇತನವೆಷ್ಟು; ದೇಶದ ಕನಿಷ್ಠ ವೇತನದ ನಿಯಮದನ್ವಯ ನೀಡಬೇಕಾದ ಕನಿಷ್ಠ ವೇತನ ಎಷ್ಟು;

(ಆ) ಮುಜರಾಯಿ ಇಲಾಖೆಗೆ ಒಳಪಡುವ ದೇವಸ್ಥಾನಗಳಲ್ಲಿ ಸೇವೆ ಸಲ್ಲಿಸುತ್ತಿರುವ ಅರ್ಚಕರಿಗೆ ಮತ್ತು ಇತರ ಸಹಾಯಕರಿಗೆ ನೀಡುವ ವೇತನವನ್ನು ದುಪ್ಪಟ್ಟು ಮಾಡಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ;

(ಇ) ಮುಜರಾಯಿ ಇಲಾಖೆಗೆ ಒಳಪಡುವ ದೇವಸ್ಥಾನಗಳಲ್ಲಿ ಸೇವೆ ಸಲ್ಲಿಸುತ್ತಿರುವ ಅರ್ಚಕರ ಮತ್ತು ಇತರ ಸಹಾಯಕರ ಮಕ್ಕಳು ಹಾಗೂ ಕುಟುಂಬದವರಿಗೆ ಸರ್ಕಾರ ಯಾವ ಯಾವ ಸೌಲಭ್ಯಗಳನ್ನು ನೀಡುತ್ತಿದೆ;

(ಈ) ಮುಜರಾಯಿ ಇಲಾಖೆಗೆ ಒಳಪಡುವ ದೇವಸ್ಥಾನಗಳಲ್ಲಿ ಸೇವೆ ಸಲ್ಲಿಸುತ್ತಿರುವ ಅರ್ಚಕರ ಮತ್ತು ಇತರ ಸಹಾಯಕರ ಮಕ್ಕಳಿಗೆ ಸ್ಕಾಲರ್ಶಿಪ್ ನೀಡಲು ಸರ್ಕಾರ ಕೈಗೊಂಡ ಕ್ರಮಗಳೇನು; ಉನ್ನತ ಶಿಕ್ಷಣ ಪಡೆಯುತ್ತಿರುವ ಮಕ್ಕಳಿಗೆ ಎಷ್ಟು ಮೊತ್ತದ ಸ್ಕಾಲರ್ಶಿಪ್ ನೀಡಲಾಗುವುದು;

(ಉ) ಮುಜರಾಯಿ ಇಲಾಖೆಗೆ ಒಳಪಡುವ ದೇವಸ್ಥಾನಗಳಲ್ಲಿ ಸೇವೆ ಸಲ್ಲಿಸುತ್ತಿರುವ ಅರ್ಚಕರು ಮತ್ತು ಇತರ ಸಹಾಯಕರು ಸೇರಿದಂತೆ ಅವರ ಕುಟುಂಬ ವರ್ಗದವರಿಗೆ ಆಸ್ಪತ್ರೆಗಳಲ್ಲಿ ಚಿಕಿತ್ಸೆ ನೀಡಲು ಸರ್ಕಾರ ಜಾರಿಗೊಳಿಸಿರುವ ಯೋಜನೆ ಯಾವುದು ?